# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಏಳನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಶನಿವಾರ, ದಿನಾಂಕ 26ನೇ ಸೆಪ್ಟೆಂಬರ್, 2020
(ಸಮಯ: ಬೆಳಿಗ್ಗೆ 10.30 ಗಂಟೆಗೆ)

----

## 1. ಅರ್ಜಿಯನ್ನೊಪ್ಪಿಸುವುದು

**ಶ್ರೀ ಆನಂದ್ ಅಲಿಯಾಸ್ ವಿಶ್ವನಾಥ್ ಚಂದ್ರಶೇಖರ ಮಾಮನಿ** (ಮಾನ್ಯ ಉಪ ಸಭಾಧ್ಯಕ್ಷರು) ಅವರು ಬೆಳಗಾವಿ ಜಿಲ್ಲೆಯ ಸವದತ್ತಿ ತಾಲ್ಲೂಕಿನ ಮುನವಳ್ಳಿ ಗ್ರಾಮದಲ್ಲಿ ಮಲಪ್ರಭಾ ನದಿಯ ಪ್ರವಾಹದಿಂದಾಗಿ ಬೆಳೆಗಳಿಗೆ ಆಗಿರುವ ಹಾನಿಗೆ ಪರಿಹಾರ ಒದಗಿಸುವ ಕುರಿತು ಅರ್ಜಿಯನ್ನು ಒಪ್ಪಿಸುವುದು.

## 2. ಶಾಸನ ರಚನೆ

### I. ವಿಧೇಯಕವನ್ನು ಮಂಡಿಸುವುದು

**ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಪಟ್ಟಣ ಮತ್ತು ಗ್ರಾಮಾಂತರ ಯೋಜನೆ (ನಾಲ್ಕನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### II. ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

1. **ಶ್ರೀ ಆರ್. ಅಶೋಕ (ಮಾನ್ಯ ಕಂದಾಯ ಸಚಿವರು) ಅವರು:–**

ಅ) ದಿನಾಂಕ:25.09.2020 ರಂದು ಪರ್ಯಾಲೋಚಿಸಬೇಕೆಂದು ಸೂಚಿಸಿದ 2020ನೇ ಸಾಲಿನ ಕರ್ನಾಟಕ ಭೂ ಸುಧಾರಣೆಗಳ (ಎರಡನೇ ತಿದ್ದುಪಡಿ) ವಿಧೇಯಕದ ಮೇಲೆ ಮುಂದುವರೆದ ಚರ್ಚೆ;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

... 2/ ..

**2. ಶ್ರೀ ಎಸ್.ಟಿ. ಸೋಮಶೇಖರ್ (ಮಾನ್ಯ ಸಹಕಾರ ಸಚಿವರು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಕೃಷಿ ಉತ್ಪನ್ನ ಮಾರುಕಟ್ಟೆ ವ್ಯವಹಾರ (ನಿಯಂತ್ರಣ ಮತ್ತು ಅಭಿವೃದ್ಧಿ) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**3. ಶ್ರೀ ಆರ್. ಅಶೋಕ (ಮಾನ್ಯ ಕಂದಾಯ ಸಚಿವರು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಭೂ ಕಬಳಿಕೆ ನಿಷೇಧ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**4. ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಪಟ್ಟಣ ಮತ್ತು ಗ್ರಾಮಾಂತರ ಯೋಜನೆ (ನಾಲ್ಕನೇ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 3. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಸಿದ್ದರಾಮಯ್ಯ, ಆರ್.ವಿ. ದೇಶಪಾಂಡೆ, ಕೆ.ಜೆ. ಜಾರ್ಜ್, ಕೃಷ್ಣಭೈರೇಗೌಡ, ಡಿ.ಕೆ. ಶಿವಕುಮಾರ್ ಹಾಗೂ ದಿನೇಶ್ ಗುಂಡೂರಾವ್ ಇವರುಗಳು** – ಸಾಮಾಜಿಕ ಜಾಲತಾಣದಲ್ಲಿ ಅವಹೇಳನಕಾರಿ ಪೋಸ್ಟ್ ಮಾಡಿದ್ದಾರೆನ್ನಲಾದ ಹಿನ್ನೆಲೆಯಲ್ಲಿ, ಬೆಂಗಳೂರಿನ ಡಿ.ಜೆ. ಹಳ್ಳಿ, ಕೆ.ಜಿ. ಹಳ್ಳಿ ಹಾಗೂ ಕಾವಲ್ ಭೈರಸಂದ್ರದಲ್ಲಿ ಉಂಟಾದ ಗಲಭೆಯ ಸಂದರ್ಭದಲ್ಲಿ ನಡೆದ ಗೋಲಿಬಾರ್‌ನಿಂದ ಜನರು ಮೃತಪಟ್ಟಿದ್ದು, ಸರ್ಕಾರದ ಆಸ್ತಿಗಳಿಗೆ ನಷ್ಟ ಉಂಟಾಗಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

2) **ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಬಂಡೆಪ್ಪ ಖಾಶೆಂಪೂರ, ಹೆಚ್.ಕೆ. ಕುಮಾರಸ್ವಾಮಿ, ಹೆಚ್.ಡಿ. ರೇವಣ್ಣ, ವೆಂಕಟರಾವ್ ನಾಡಗೌಡ ಹಾಗೂ ಇತರರು** – ರಾಜ್ಯದಲ್ಲಿ ಇತ್ತೀಚೆಗೆ ಸಂಭವಿಸಿದ ನೆರೆಹಾವಳಿಯಿಂದ ಸಂಕಷ್ಟಕ್ಕೊಳಗಾಗಿರುವ ರೈತರಿಗೆ ಪರಿಹಾರ ನೀಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

... 3/ ..

3) **ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಬಂಡೆಪ್ಪ ಖಾಶೆಂಪೂರ, ಹೆಚ್.ಡಿ. ರೇವಣ್ಣ, ಕೆ.ಎಂ. ಶಿವಲಿಂಗೇಗೌಡ, ಕೆ.ಎಸ್. ಲಿಂಗೇಶ್ ಹಾಗೂ ಡಾ. ಕೆ. ಶ್ರೀನಿವಾಸಮೂರ್ತಿ ಇವರುಗಳು –** ಹಾಸನ ಜಿಲ್ಲೆಯ ಮೊಸಳೆಹೊಸಳ್ಳಿ ಗ್ರಾಮದಲ್ಲಿ ಪ್ರಾರಂಭಿಸಲಾಗಿರುವ ಸರ್ಕಾರಿ ಇಂಜಿನಿಯರಿಂಗ್ ಕಾಲೇಜಿನ ವಿದ್ಯಾರ್ಥಿಗಳನ್ನು ಬೇರೆಡೆಗೆ ವರ್ಗಾಯಿಸುವುದರಿಂದ ಉಂಟಾಗುವ ಸಮಸ್ಯೆಗಳ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

4) **ಶ್ರೀಯುತರುಗಳಾದ ಈಶ್ವರ ಬಿ. ಖಂಡ್ರೆ, ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್, ಮುರುಗೇಶ್ ರುದ್ರಪ್ಪ ನಿರಾಣಿ, ಲಾಲಾಜಿ ಆರ್. ಮೆಂಡನ್, ಕೆ. ರಘುಪತಿ ಭಟ್, ಹಾಲಾಡಿ ಶ್ರೀನಿವಾಸ ಶೆಟ್ಟಿ ಹಾಗೂ ಇತರರು –** ಗೆಜೆಟೆಡ್ ಪ್ರೊಬೇಷನರಿ ಪರೀಕ್ಷೆಯಲ್ಲಿ ಆಯ್ಕೆಯಾದ 362 ಅಭ್ಯರ್ಥಿಗಳಿಗೆ ನೇಮಕಾತಿ ಆದೇಶ ನೀಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

5) **ಶ್ರೀಯುತರುಗಳಾದ ಗೂಳಿಹಟ್ಟಿ ಡಿ.ಶೇಖರ್, ಕೆ. ಮಾಡಾಳು ವಿರೂಪಾಕ್ಷಪ್ಪ ಹಾಗೂ ಜ್ಯೋತಿ ಗಣೇಶ್ ಇವರುಗಳು –** ರಾಜ್ಯದಲ್ಲಿ ಪರಿಶಿಷ್ಟ ಜಾತಿ, ಪರಿಶಿಷ್ಟ ವರ್ಗ, ಹಿಂದುಳಿದ ಹಾಗೂ ಇತರೆ ಸಮುದಾಯದ ಅಮಾಯಕ ಬಡ ಜನರನ್ನು ಕ್ರೈಸ್ತ ಧರ್ಮಕ್ಕೆ ಮತಾಂತರಗೊಳಿಸುವುದನ್ನು ತಡೆಗಟ್ಟುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

6) **ಶ್ರೀಯುತರುಗಳಾದ ಈಶ್ವರ್ ಖಂಡ್ರೆ ಹಾಗೂ ಹೆಚ್.ಕೆ. ಪಾಟೀಲ್ ಇವರುಗಳು –** ಹಿಂದಿ ಭಾಷೆಯನ್ನು ಕಡ್ಡಾಯವಾಗಿ ಎಲ್ಲಾ ರಾಜ್ಯಗಳಲ್ಲಿ ಅನುಷ್ಠಾನಗೊಳಿಸುವುದಕ್ಕೆ ಸಂಬಂಧಿಸಿದಂತೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

7) **ಶ್ರೀಯುತರುಗಳಾದ ಈ. ತುಕಾರಾಂ ಹಾಗೂ ಆರ್. ನರೇಂದ್ರ ಇವರುಗಳು –** ರಾಜ್ಯದಲ್ಲಿ ನರೇಗಾ ಉದ್ಯೋಗ ಖಾತ್ರಿ ಯೋಜನೆಯಲ್ಲಿ ಕೆಲಸ ನಿರ್ವಹಿಸುತ್ತಿರುವ ಕೂಲಿ ಕಾರ್ಮಿಕರಿಗೆ ವೇತನ ಪಾವತಿ ಕುರಿತಂತೆ ಹಾಗೂ ಕೇಂದ್ರ ಸರ್ಕಾರವು ರಾಜ್ಯಕ್ಕೆ ನೀಡಬೇಕಾದ ಅನುದಾನ ಬಿಡುಗಡೆ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

8) **ಶ್ರೀ ಸಿ.ಎನ್. ಬಾಲಕೃಷ್ಣ ಇವರು –** ಶ್ರವಣಬೆಳಗೊಳ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಬರುವ ನುಗ್ಗೇಹಳ್ಳಿ, ಹಿರಿಸಾವೆ, ಶ್ರವಣಬೆಳಗೊಳ ಮತ್ತು ಚನ್ನರಾಯಪಟ್ಟಣ, ಅಮಾನಿಕೆರೆ ಕಲ್ಲೇ ಸೋಮನಹಳ್ಳಿ ಏತ ನೀರಾವರಿ ಯೋಜನೆಯ ಭೂ ಸ್ವಾಧೀನದ ಪ್ರಕ್ರಿಯೆಗೆ ಹಣ ಬಿಡುಗಡೆ ಮಾಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

9) **ಶ್ರೀಯುತರುಗಳಾದ ಎನ್.ಎ. ಹ್ಯಾರಿಸ್, ಯು.ಟಿ. ಖಾದರ್ ಹಾಗೂ ಶ್ರೀಮತಿ ಸೌಮ್ಯರೆಡ್ಡಿ, ಇವರುಗಳು –** ಸ್ಮಾರ್ಟ್ ಸಿಟಿ ಯೋಜನೆಯ ಅನುಷ್ಠಾನದಲ್ಲಿ ಉಂಟಾಗಿರುವ ಸಮಸ್ಯೆಗಳ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

... 4/ ..

10) **ಶ್ರೀಯುತರುಗಳಾದ ತನ್ವೀರ್ ಸೇಠ್ ಹಾಗೂ ಎಸ್. ಯತೀಂದ್ರ ಇವರುಗಳು** – ರಾಜ್ಯದಲ್ಲಿ ಬೀಡಿ ಉದ್ದಿಮೆಗಳು ನಶಿಸಿಹೋಗುತ್ತಿರುವ ಸಂದರ್ಭದಲ್ಲಿ ಬೀಡಿ ಕಾರ್ಮಿಕರಿಗೆ ವಿಶೇಷ ಭತ್ಯೆ ಮತ್ತು ಸಾಮಾಜಿಕ ಭದ್ರತೆ ಒದಗಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

11) **ಶ್ರೀಯುತರುಗಳಾದ ಯು.ಟಿ. ಖಾದರ್, ಆರ್.ವಿ. ದೇಶಪಾಂಡೆ ಹಾಗೂ ಶ್ರೀಮತಿ ಸೌಮ್ಯರೆಡ್ಡಿ ಇವರುಗಳು** – ಕೊರೊನಾ ಪಿಡುಗು ಸಂದರ್ಭದಲ್ಲಿ ಸಂಕಷ್ಟಕ್ಕೆ ಒಳಗಾದ ರಿಕ್ಷಾ, ಕಾರು ಹಾಗೂ ಇತರೆ ಚಾಲಕ ವರ್ಗದವರಿಗೆ ಘೋಷಣೆ ಮಾಡಿರುವ ವಿಶೇಷ ಪ್ಯಾಕೇಜ್ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

12) **ಶ್ರೀಯುತರುಗಳಾದ ಕೃಷ್ಣಬೈರೇಗೌಡ, ಪಿ.ಟಿ. ಪರಮೇಶ್ವರ ನಾಯ್ಕ್ ಹಾಗೂ ಶ್ರೀಮತಿ ಲಕ್ಷ್ಮೀ ಆರ್. ಹೆಬ್ಬಾಳ್ಕರ್ ಇವರುಗಳು** – ರಾಜ್ಯದ ಕ್ಷೌರಿಕರು, ನೇಕಾರರು, ಮಡಿವಾಳರು ಸೇರಿದಂತೆ ಅಸಂಘಟಿತ ಕಾರ್ಮಿಕರಿಗೆ ಘೋಷಣೆ ಮಾಡಿರುವ ವಿಶೇಷ ಪ್ಯಾಕೇಜ್ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

13) **ಶ್ರೀಯುತರುಗಳಾದ ದಿನೇಶ್ ಗುಂಡೂರಾವ್, ಕೆ.ಆರ್. ರಮೇಶ್ ಕುಮಾರ್ ಹಾಗೂ ಆನಂದ್ ಸಿದ್ದು ನ್ಯಾಮಗೌಡ ಇವರುಗಳು** – ಕೇಂದ್ರ ಸರ್ಕಾರ ಪ್ರಕಟಿಸಿರುವ ಹೊಸ ರಾಷ್ಟ್ರೀಯ ಶಿಕ್ಷಣ ನೀತಿಯ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

14) **ಶ್ರೀಯುತರುಗಳಾದ ಎನ್. ಮಹೇಶ್, ಡಾ|| ಹೆಚ್.ಡಿ. ರಂಗನಾಥ್ ಹಾಗೂ ಶರತ್‌ಕುಮಾರ್ ಬಚ್ಚೇಗೌಡ ಇವರುಗಳು** – ರಾಜ್ಯದ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಅತಿಥಿ ಉಪನ್ಯಾಸಕರುಗಳನ್ನು ಖಾಯಂ ನೇಮಕಾತಿಗೆ ಪರಿಗಣಿಸುವ ಹಾಗೂ ರಾಜ್ಯದ ಸರ್ಕಾರಿ ಹಿರಿಯ ಪ್ರಾಥಮಿಕ ಶಾಲೆಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಶಿಕ್ಷಕರನ್ನು ಪ್ರೌಢ ಶಾಲೆಗಳಿಗೆ ಮರು ಹೊಂದಾಣಿಕೆ ಮಾಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

15) **ಶ್ರೀಯುತರುಗಳಾದ ಎನ್. ಮಹೇಶ್, ಡಾ|| ಹೆಚ್.ಡಿ. ರಂಗನಾಥ್ ಹಾಗೂ ಶರತ್‌ಕುಮಾರ್ ಬಚ್ಚೇಗೌಡ ಇವರುಗಳು** – ಕೇಂದ್ರ ಲೋಕಸೇವಾ ಆಯೋಗ, Staff Selection Commission (SSC), ರೈಲ್ವೆ ನೇಮಕಾತಿ ಮಂಡಳಿ, Institute of Banking Personnel Selection (IBPS) ಸೇರಿದಂತೆ, ಇತರೆ ನೇಮಕಾತಿಗಳಿಗೆ ನಡೆಯುವ ಪರೀಕ್ಷೆಗಳಲ್ಲಿ ಪ್ರಶ್ನೆ ಪತ್ರಿಕೆಯನ್ನು ಕನ್ನಡದಲ್ಲಿ ಮುದ್ರಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

16) **ಶ್ರೀಯುತರುಗಳಾದ ಎನ್. ಮಹೇಶ್, ಡಾ|| ಹೆಚ್.ಡಿ. ರಂಗನಾಥ್ ಹಾಗೂ ಶರತ್‌ಕುಮಾರ್ ಬಚ್ಚೇಗೌಡ ಇವರುಗಳು** – ಬಡತನ ರೇಖೆಗಿಂತ ಕೆಳಗಿರುವ ಬಡಜನರಿಗೆ ನೀಡಿರುವ ವಿದ್ಯುತ್ ಸಂಪರ್ಕದ ಭಾಗ್ಯಜ್ಯೋತಿ, ಕುಟೀರಜ್ಯೋತಿ ಯೋಜನೆಯಡಿಯಲ್ಲಿ ಕರ್ನಾಟಕ ರಾಜ್ಯದ ವಿವಿಧ ವಿದ್ಯುತ್ ಸರಬರಾಜು ಕಂಪನಿಗಳು ಬಿಲ್ ಮೊತ್ತದಲ್ಲಿ ವಿನಾಯಿತಿ ನೀಡುತ್ತಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

... 5/ ..

17) **ಶ್ರೀಯುತರುಗಳಾದ ಎನ್. ಮಹೇಶ್, ಡಾ॥ ಅನ್ನದಾನಿ ಹಾಗೂ ಕೆ.ಎಸ್. ಲಿಂಗೇಶ್ ಇವರುಗಳು –** ಸಾಮಾಜಿಕ ಜಾಲತಾಣಗಳಲ್ಲಿ ಸಂದೇಶಗಳನ್ನು ಹರಡುವ ಮೂಲಕ ಸಮಾಜದ ಶಾಂತಿಯನ್ನು ಹಾಳು ಮಾಡುತ್ತಿರುವ ಕಿಡಿಗೇಡಿಗಳ ವಿರುದ್ಧ ಶಿಸ್ತು ಕ್ರಮ ಕೈಗೊಳ್ಳಲು ಹಾಗೂ ಸೈಬರ್ ಕ್ರೈಮ್ ಕಾನೂನುಗಳನ್ನು ಕಠಿಣಗೊಳಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

18) **ಶ್ರೀಯುತರುಗಳಾದ ಎನ್. ಮಹೇಶ್, ಡಾ॥ ಕೆ. ಅನ್ನದಾನಿ ಹಾಗೂ ಡಾ॥ ಹೆಚ್.ಡಿ. ರಂಗನಾಥ್ ಇವರುಗಳು –** ರಾಜ್ಯದ ಸಾರ್ವಜನಿಕ ಆಸ್ಪತ್ರೆಗಳಲ್ಲಿ ವಿಶೇಷ ತಜ್ಞವೈದ್ಯರುಗಳ ಕೊರತೆಯನ್ನು ನೀಗಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

19) **ಶ್ರೀಯುತರುಗಳಾದ ಎ. ಮಂಜುನಾಥ್, ಟಿ. ವೆಂಕಟರಮಣಯ್ಯ, ಬಿ. ಶಿವಣ್ಣ ಹಾಗೂ ಶರತ್‌ಕುಮಾರ್ ಬಚ್ಚೇಗೌಡ ಇವರುಗಳು –** ಬಿಬಿಎಂಪಿ ವ್ಯಾಪ್ತಿಯ ಪರಿಮಿತಿಯಿಂದ 25 ಕಿ.ಮೀ. ವ್ಯಾಪ್ತಿಯಲ್ಲಿ ಸರ್ಕಾರಿ ಜಮೀನನ್ನು ಸಕ್ರಮಗೊಳಿಸಲು ನಿಷೇಧಿಸಿರುವುದರಿಂದ ರೈತರು ಎದುರಿಸುತ್ತಿರುವ ಸಮಸ್ಯೆಗಳ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 4.ಅವಿಶ್ವಾಸ ನಿರ್ಣಯದ ಪ್ರಸ್ತಾವ

ವಿರೋಧ ಪಕ್ಷದ ನಾಯಕರಾದ ಶ್ರೀ ಸಿದ್ದರಾಮಯ್ಯ ಹಾಗೂ ಇತರರು ನೀಡಿರುವ ಈ ಕೆಳಕಂಡ ಪ್ರಸ್ತಾವದ ಮೇಲೆ ಚರ್ಚೆ, ಸರ್ಕಾರದ ಉತ್ತರ ಮತ್ತು ಮತಕ್ಕೆ ಹಾಕುವುದು.

**"ಈ ಸದನವು ಮಾನ್ಯ ಶ್ರೀ ಬಿ.ಎಸ್. ಯಡಿಯೂರಪ್ಪನವರ ನೇತೃತ್ವದ ಮಂತ್ರಿಮಂಡಲದ ಮೇಲೆ ವಿಶ್ವಾಸ ಕಳೆದುಕೊಂಡಿದೆ"**

## 5. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಟಿ. ರಘುಮೂರ್ತಿ ಅವರು –** ಚಿತ್ರದುರ್ಗ ಜಿಲ್ಲೆಯ ತಾಲ್ಲೂಕುಗಳಲ್ಲಿ ಅತಿವೃಷ್ಟಿಯಿಂದಾಗಿ ಬೆಳೆ ಹಾನಿ (ಈರುಳ್ಳಿ) ಉಂಟಾಗಿದ್ದು ಸಂಕಷ್ಟದಲ್ಲಿರುವ ರೈತರಿಗೆ ಪರಿಹಾರ ನೀಡುವ ಬಗ್ಗೆ ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರ ಗಮನ ಸೆಳೆಯುವುದು.

2) **ಶ್ರೀ ಗೂಳಿಹಟ್ಟಿ ಡಿ. ಶೇಖರ್ ಅವರು –** ಚಿತ್ರದುರ್ಗ ಜಿಲ್ಲೆಯಲ್ಲಿರುವ ವಾಣಿವಿಲಾಸ ಜಲಾಶಯದ ಸಂಗ್ರಹಣೆಯ ನೀರಿನಲ್ಲಿ ಭಾಗಶಃ ನೀರನ್ನು ಹೊಸದುರ್ಗ ತಾಲ್ಲೂಕಿಗೆ ಹಂಚಿಕೆ ಮಾಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

... 6/ ..

3) **ಶ್ರೀ ಟಿ. ವೆಂಕಟರಮಣಯ್ಯ ಅವರು** – ಬೆಂಗಳೂರು ಗ್ರಾಮಾಂತರ ಜಿಲ್ಲೆ, ದೇವನಹಳ್ಳಿ ತಾಲ್ಲೂಕಿನ ಆಕಾಶ್ ಆಸ್ಪತ್ರೆಯಲ್ಲಿ ಕೋವಿಡ್–19 ರೋಗಿಗಳ ಸಾವಿನ ಪ್ರಮಾಣ ಹೆಚ್ಚಾಗುತ್ತಿರುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

4) **ಶ್ರೀ ಕೆ.ಜಿ. ಬೋಪಯ್ಯ ಅವರು** – ಕೊಡಗು ಜಿಲ್ಲೆಯಲ್ಲಿ ಪೌತಿ ಖಾತೆ ವರ್ಗಾವಣೆ ಆಗದೇ ಖಾತೆದಾರರ ಸಂಬಂಧಿಕರು ಸರ್ಕಾರಿ ಸೌಲಭ್ಯಗಳಿಂದ ವಂಚಿತರಾಗುತ್ತಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

5) **ಶ್ರೀ ತನ್ವೀರ್ ಸೇಠ್ ಅವರು** – ಸರ್ಕಾರಿ ಶಾಲೆಗಳಲ್ಲಿನ ವಿದ್ಯಾರ್ಥಿಗಳಿಗೆ ಆನ್‌ಲೈನ್ ಮೂಲಕ ಶಿಕ್ಷಣ ನೀಡಲು ಅನುಮತಿ ನೀಡಿರುವುದರಿಂದ ಗ್ರಾಮೀಣ ಭಾಗದ ವಿದ್ಯಾರ್ಥಿಗಳಿಗೆ ಸಮಸ್ಯೆಯಾಗಿರುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

6) **ಶ್ರೀ ಆರಗ ಜ್ಞಾನೇಂದ್ರ ಅವರು** – ಶಿವಮೊಗ್ಗ ಜಿಲ್ಲೆಯಲ್ಲಿ ಬಿ.ಎಲ್.ಓ. ಗಳಾಗಿ ಕಾರ್ಯನಿರ್ವಹಿಸುತ್ತಿರುವ ಅಂಗನವಾಡಿ ಕಾರ್ಯಕರ್ತೆಯರು ಹಾಗೂ ಶಿಕ್ಷಕರಿಗೆ ಕಳೆದ ಎರಡು ವರ್ಷಗಳಿಂದ ವೇತನ ಪಾವತಿಯಾಗದೇ ಇರುವ ಬಗ್ಗೆ ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರೀಕರ ಸಬಲೀಕರಣ ಸಚಿವರ ಗಮನ ಸೆಳೆಯುವುದು.

7) **ಶ್ರೀ ಕೃಷ್ಣಬೈರೇಗೌಡ ಅವರು** – ತೀವ್ರ ಸಂಕಷ್ಟದಲ್ಲಿರುವ ತರಕಾರಿ ಮತ್ತು ಹೂ ಬೆಳೆಗಾರರಿಗೆ ವಿಶೇಷ ಪ್ಯಾಕೇಜ್‌ನ್ನು ಒದಗಿಸುವಲ್ಲಿ ಆಗುತ್ತಿರುವ ವಿಳಂಬದ ಬಗ್ಗೆ ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರ ಗಮನ ಸೆಳೆಯುವುದು.

8) **ಶ್ರೀ ರಾಜಶೇಖರ ಬಸವರಾಜ ಪಾಟೀಲ್ ಅವರು** – ರಾಜ್ಯದಲ್ಲಿ ಕಳಪೆ ಬೀಜ ವಿತರಣೆಯಿಂದ ರೈತರಿಗೆ ಆಗುತ್ತಿರುವ ತೊಂದರೆಗಳ ಬಗ್ಗೆ ಮಾನ್ಯ ಕೃಷಿ ಸಚಿವರ ಗಮನ ಸೆಳೆಯುವುದು.

9) **ಶ್ರೀ ಎ.ಟಿ. ರಾಮಸ್ವಾಮಿ ಅವರು** – ಅರಕಲಗೂಡು ವಿಧಾನಸಭಾ ಕ್ಷೇತ್ರದ ಹಳ್ಳಿಮೈಸೂರು ಹೋಬಳಿಯ ರಂಗೇನಹಳ್ಳಿ ಏತ ನೀರಾವರಿ ಯೋಜನೆಯನ್ನು ಪುನರ್ ಪ್ರಾರಂಭಿಸುವ ಬಗ್ಗೆ ಮಾನ್ಯ ಜಲ ಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

10) **ಶ್ರೀ ಕೆ.ಎಂ. ಶಿವಲಿಂಗೇಗೌಡ ಅವರು** – ಅರಸೀಕೆರೆ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯಲ್ಲಿ ಎತ್ತಿನಹೊಳೆ ಯೋಜನೆಗಾಗಿ ಭೂಸ್ವಾಧೀನ ಪಡಿಸಿಕೊಂಡಿರುವುದರಿಂದ ಸಂಕಷ್ಟಕ್ಕೊಳಗಾಗಿರುವ ರೈತರಿಗೆ ಪರಿಹಾರ ಧನವನ್ನು ನೀಡುವ ಬಗ್ಗೆ ಮಾನ್ಯ ಜಲ ಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

... 7/ ..

11) **ಶ್ರೀ ಈ. ತುಕಾರಾಮ್ ಅವರು** – ಜನಸಂಖ್ಯೆಗೆ ಅನುಗುಣವಾಗಿ ಪರಿಶಿಷ್ಟ ಜಾತಿ / ಪರಿಶಿಷ್ಟ ಪಂಗಡದವರಿಗೆ ಶಿಕ್ಷಣ ಮತ್ತು ಉದ್ಯೋಗದಲ್ಲಿ ಮೀಸಲಾತಿ ಸಂಬಂಧ ಜಸ್ಟೀಸ್ ನಾಗಮೋಹನ್ ದಾಸ್ ರವರ ವರದಿಯ ಶಿಫಾರಸ್ಸುಗಳನ್ನು ಅನುಷ್ಠಾನಗೊಳಿಸುವ ಬಗ್ಗೆ ಮಾನ್ಯ ಉಪ ಮುಖ್ಯಮಂತ್ರಿಯವರ (ಲೋಕೋಪಯೋಗಿ ಹಾಗೂ ಸಮಾಜ ಕಲ್ಯಾಣ) ಗಮನ ಸೆಳೆಯುವುದು.

12) **ಶ್ರೀ ಎಂ. ಸತೀಶ್ ರೆಡ್ಡಿ ಅವರು** – ಬೆಂಗಳೂರು ವ್ಯಾಪ್ತಿಯ ಸುತ್ತಮುತ್ತಲಿನ ಗ್ರಾಮಗಳಲ್ಲಿನ ಹಸಿರು ವಲಯ ವ್ಯಾಪ್ತಿಯಲ್ಲಿ ಅಕ್ರಮವಾಗಿ ನಿರ್ಮಿಸುತ್ತಿರುವ ಬಡಾವಣೆಗಳ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

13) **ಶ್ರೀ ಎಂ.ವೈ. ಪಾಟೀಲ್ ಅವರು** – ಅಫಜಲಪುರ ಮತಕ್ಷೇತ್ರದ ಕೆಲವು ಗ್ರಾಮಗಳಲ್ಲಿ ಥರ್ಮಲ್ ಘಟಕ ಹಾಗೂ ಸಿಮೆಂಟ್ ಕಾರ್ಖಾನೆಯನ್ನು ಸ್ಥಾಪಿಸಲು ಜಮೀನನ್ನು ಸ್ವಾಧೀನ ಪಡಿಸಿಕೊಂಡಿರುವುದರಿಂದ ರೈತರು ಎದುರಿಸುತ್ತಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

14) **ಶ್ರೀ ದೇವಾನಂದ ಫೂಲಸಿಂಗ್ ಚವ್ಹಾಣ ಅವರು** – ವಿಜಯಪುರ ಜಿಲ್ಲೆಯ ತಳವಾರ ಹಾಗೂ ಪರಿವಾರ ಜನಾಂಗದವರಿಗೆ ಪರಿಶಿಷ್ಟ ಪಂಗಡದ ಜಾತಿ ಪ್ರಮಾಣಪತ್ರದ ವಿತರಣೆಯಲ್ಲಿ ಆಗುತ್ತಿರುವ ವಿಳಂಬದ ಬಗ್ಗೆ ಮಾನ್ಯ ಉಪ ಮುಖ್ಯಮಂತ್ರಿಯವರ (ಲೋಕೋಪಯೋಗಿ ಹಾಗೂ ಸಮಾಜ ಕಲ್ಯಾಣ) ಗಮನ ಸೆಳೆಯುವುದು.

15) **ಶ್ರೀಮತಿ ಲಕ್ಷ್ಮಿ ಆರ್. ಹೆಬ್ಬಾಳ್ಕರ್ ಅವರು** – ರಾಜ್ಯದಲ್ಲಿ ಕೊರೊನಾ ಸಾಂಕ್ರಾಮಿಕ ರೋಗ ಹರಡುವ ಮೊದಲು ಸಿದ್ದಪಡಿಸಿರುವ ಬಟ್ಟೆಗಳನ್ನು ಮಾರಾಟ ಮಾಡಲಾಗದೆ ಸಂಕಷ್ಟಕ್ಕೊಳಗಾಗಿರುವ ನೇಕಾರರ ಸಮಸ್ಯೆಗಳ ಬಗ್ಗೆ ಮಾನ್ಯ ಕೈಮಗ್ಗ ಮತ್ತು ಜವಳಿ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಸಚಿವರ ಗಮನ ಸೆಳೆಯುವುದು.

16) **ಶ್ರೀ ಕೆ. ರಘುಪತಿ ಭಟ್ ಅವರು** – ಉಡುಪಿ ಜಿಲ್ಲೆಯ ಬ್ರಹ್ಮಾವರವನ್ನು ಪುರಸಭೆಯನ್ನಾಗಿ ಘೋಷಣೆ ಮಾಡುವ ಬಗ್ಗೆ ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರ ಗಮನ ಸೆಳೆಯುವುದು.

17) **ಶ್ರೀ ಎಂ. ಕೃಷ್ಣಾರೆಡ್ಡಿ ಅವರು** – ಚಿಂತಾಮಣಿ ತಾಲ್ಲೂಕಿನ ಗ್ರಾಮಾಂತರ ಪ್ರದೇಶಗಳಲ್ಲಿ ಕೊಳವೆ ಬಾವಿಗಳನ್ನು ಕೊರೆಯುವುದನ್ನು ಸ್ಥಗಿತಗೊಳಿಸಿರುವುದರಿಂದ ಉಂಟಾಗಿರುವ ಕುಡಿಯುವ ನೀರಿನ ಸಮಸ್ಯೆ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

18) **ಶ್ರೀ ಅಬ್ಬಯ್ಯ ಪ್ರಸಾದ್ ಅವರು** – ಹುಬ್ಬಳ್ಳಿ-ಧಾರವಾಡ ಮಹಾನಗರ ಪಾಲಿಕೆಗೆ ನಗರೋತ್ಥಾನ ಯೋಜನೆಯಡಿಯಲ್ಲಿ ಮಂಜೂರು ಮಾಡಲಾಗಿದ್ದ ವಿಶೇಷ ಅನುದಾನವನ್ನು ಹಿಂಪಡೆದಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

19) **ಶ್ರೀ ಪ್ರಿಯಾಂಕ ಖರ್ಗೆ ಅವರು** – ರಾಜ್ಯದಲ್ಲಿ ಕಾರ್ಯನಿರ್ವಹಿಸುತ್ತಿರುವ ಸಾರ್ವಜನಿಕ ಉದ್ದಿಮೆಗಳು ಸಾರ್ವಜನಿಕ ಹೊಣೆಗಾರಿಕೆ ಅನ್ವಯ ಪಿ.ಎಂ. ಕೇರ್ಸ್‌ಗೆ ದೇಣಿಗೆ ನೀಡಿರುವ ಬಗ್ಗೆ ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕಾ ಸಚಿವರ ಗಮನ ಸೆಳೆಯುವುದು.

20) **ಶ್ರೀ ಬಿ. ಹರ್ಷವರ್ಧನ ಅವರು** – ಅತಿವೃಷ್ಟಿಯಿಂದಾಗಿ ಹೆಚ್ಚಿನ ಹಾನಿ ಉಂಟಾಗಿರುವ ನಂಜನಗೂಡು ತಾಲ್ಲೂಕನ್ನು ಪ್ರವಾಹ ಪೀಡಿತ ತಾಲ್ಲೂಕು ಎಂದು ಘೋಷಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

21) **ಶ್ರೀ ಅಶ್ವಿನ್ ಕುಮಾರ್ ಎಂ. ಅವರು** – **'ಟಿ'** ನರಸೀಪುರ ವಿಧಾನಸಭಾ ಕ್ಷೇತ್ರದ ಬನ್ನೂರು ಹೋಬಳಿಯ ಮಲಿಯೂರಿನಲ್ಲಿ ನೂತನವಾಗಿ ಪ್ರಾರಂಭಿಸಿರುವ ಎಮ್.ಸಿ.ಹೆಚ್. ಆಸ್ಪತ್ರೆಗೆ ವೈದ್ಯರು ಮತ್ತು ವೈದ್ಯಕೀಯೇತರ ಹುದ್ದೆಗಳನ್ನು ಮಂಜೂರು ಮಾಡಲು ಹಾಗೂ ಅವಶ್ಯಕ ಯಂತ್ರೋಪಕರಣಗಳನ್ನು ಒದಗಿಸಲು ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

22) **ಡಾ. ಅಜಯ್ ಧರ್ಮಸಿಂಗ್ ಅವರು** – ಕಲಬುರಗಿ ಜಿಲ್ಲೆಯ ತಳವಾರ ಮತ್ತು ಪರಿವಾರ ಜನಾಂಗದವರನ್ನು ಪರಿಶಿಷ್ಟ ಪಂಗಡಕ್ಕೆ ಸೇರ್ಪಡೆ ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

23) **ಶ್ರೀ ಸಿ.ಎಸ್. ನಿರಂಜನ್ ಕುಮಾರ್ ಅವರು** – ಚಾಮರಾಜ ನಗರ ಜಿಲ್ಲಾ ಸಹಕಾರಿ ಹಾಲು ಒಕ್ಕೂಟದಲ್ಲಿ ಮೀಸಲಾತಿ ವರ್ಗೀಕರಣವನ್ನು ಉಲ್ಲಂಘಿಸಿ ವಿವಿಧ ಹುದ್ದೆಗಳಿಗೆ ನೇಮಕ ಮಾಡಿರುವ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

24) **ಶ್ರೀ ಸಿದ್ದು ಸವದಿ ಅವರು** – ತೇರದಾಳ ವಿಧಾನಸಭಾ ಕ್ಷೇತ್ರದ ಹಿಪ್ಪರಗಿ ಗ್ರಾಮದ ಪದವಿಪೂರ್ವ ಕಾಲೇಜಿಗೆ ಬೋಧಕ ಮತ್ತು ಬೋಧಕೇತರ ಸಿಬ್ಬಂದಿಗಳನ್ನು ನೇಮಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

25) **ಶ್ರೀ ರಿಜ್ವಾನ್ ಅರ್ಷದ್ ಅವರು** – ಬೆಂಗಳೂರು ವೈಟ್ ಟ್ಯಾಪಿಂಗ್ ಯೋಜನೆಯ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

26) **ಶ್ರೀ ಭೀಮಾನಾಯಕ್ ಎಸ್. ಅವರು** – ರಾಜ್ಯದಲ್ಲಿನ ಪರಿಶಿಷ್ಟ ಪಂಗಡದ ಮೀಸಲಾತಿಯನ್ನು ಶೇಕಡ 7.5ಕ್ಕೆ ಹೆಚ್ಚಿಸುವ ಬಗ್ಗೆ ಮಾನ್ಯ ಉಪ ಮುಖ್ಯಮಂತ್ರಿಯವರ (ಲೋಕೋಪಯೋಗಿ ಹಾಗೂ ಸಮಾಜ ಕಲ್ಯಾಣ) ಗಮನ ಸೆಳೆಯುವುದು.

27) **ಶ್ರೀ ಈ. ತುಕಾರಾಮ್ ಅವರು** – ಸರ್ಕಾರಿ ಜಮೀನುಗಳನ್ನು ವಿವಿಧ ಸರ್ಕಾರಿ ಇಲಾಖೆಗಳಿಗೆ ಮೀಸಲಿಟ್ಟು ಉಳಿದ ಜಮೀನುಗಳನ್ನು ರೈತರು ಹಾಗೂ ಬಡವರಿಗೆ ಹಂಚಿಕೆ ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

28) **ಡಾ. ಯತೀಂದ್ರ ಸಿದ್ದರಾಮಯ್ಯ ಅವರು** – ವರುಣ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ವಿವಿಧ ಯೋಜನೆಗಳಡಿಯಲ್ಲಿ ಮಂಜೂರಾದ ಆಶ್ರಯ ಮನೆಗಳನ್ನು ನಿರ್ಮಾಣ ಮಾಡುವ ಬಗ್ಗೆ ಮಾನ್ಯ ವಸತಿ ಸಚಿವರ ಗಮನ ಸೆಳೆಯುವುದು.

29) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹಾಸನ ಜಿಲ್ಲೆಯ ಮೊಸಳೆಹೊಸಳ್ಳಿ ಗ್ರಾಮದಲ್ಲಿ ಪ್ರಾರಂಭಿಸಲಾಗಿರುವ ಸರ್ಕಾರಿ ಇಂಜಿನಿಯರಿಂಗ್ ಕಾಲೇಜಿನ ವಿದ್ಯಾರ್ಥಿಗಳನ್ನು ಬೇರೆಡೆಗೆ ವರ್ಗಾಯಿಸುವುದರಿಂದ ಉಂಟಾಗುವ ಸಮಸ್ಯೆಗಳ ಬಗ್ಗೆ ಮಾನ್ಯ ಉಪ ಮುಖ್ಯಮಂತ್ರಿಯವರ (ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ) ಗಮನ ಸೆಳೆಯುವುದು.

30) **ಶ್ರೀ ಹೆಚ್.ಕೆ. ಪಾಟೀಲ್ ಅವರು** – ರಾಜ್ಯದ ಕುಶಲಕರ್ಮಿಗಳ ವಸತಿ ಕಾರ್ಯಾಗಾರ ನಿರ್ಮಾಣ ಕಾಮಗಾರಿಗಳು ವಿಳಂಬವಾಗುತ್ತಿರುವ ಬಗ್ಗೆ ಮಾನ್ಯ ವಸತಿ ಸಚಿವರ ಗಮನ ಸೆಳೆಯುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm